ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಶುಕ್ರವಾರ, ದಿನಾಂಕ: 25ನೇ ಸೆಪ್ಟಂಬರ್, 2020

ಎಂ. ಶೆಟ್ಟಿಹಳ್ಳಿ ಗ್ರಾಮಕ್ಕೆ ರಸ್ತೆ ಅಭಿವೃದ್ಧಿ ಬಗ್ಗೆ

ಶ್ರೀ ಅ. ದೇವೇಗೌಡ (ಪದವೀಧರರ ಕ್ಷೇತ್ರ):-

608 (802) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಮಂಡ್ಯ ಜಿಲ್ಲೆ, ಪಾಂಡವಪುರ, ತಾಲ್ಲೂಕು, ಮೇಲುಕೋಟೆ ಹೋಬಳಿಯ ಎಂ. ಶೆಟ್ಟಿಹಳ್ಳಿ ಗ್ರಾಮದಲ್ಲಿ ಕಳೆದ 5 ವರ್ಷಗಳಿಂದ ಗ್ರಾಮ ಪಂಚಾಯಿತಿ ಯೋಜನೆಯಡಿಯಲ್ಲಿ ಎಷ್ಟು ಅಭಿವೃದ್ಧಿ ಕಾರ್ಯಗಳಾಗಿವೆ; ಅಭಿವೃದ್ಧಿ ಕಾರ್ಯದಲ್ಲಿ ಅವ್ಯವಹಾರ ಆಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; (ಬಂದಿದ್ದಲ್ಲಿ, ಸಂಪೂರ್ಣ ಮಾಹಿತಿ ನೀಡುವುದು)

(ಆ) ಎಂ. ಶೆಟ್ಟಿಹಳ್ಳಿ ಗ್ರಾಮಕ್ಕೆ ಹೋಗುವ ರಸ್ತೆಯ ಸಂಪೂರ್ಣ ಹಾಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲಿ, ಯಾವಾಗ ರಸ್ತೆ ಅಭಿವೃದ್ಧಿ ಕಾರ್ಯವನ್ನು ಪ್ರಾರಂಭಿಸಲಾಗುವುದು; (ಸಂಪೂರ್ಣ ಮಾಹಿತಿ ನೀಡುವುದು)

(ಇ) ಎಂ. ಶೆಟ್ಟಿಹಳ್ಳಿ ಗ್ರಾಮದಲ್ಲಿ ಅದೇ ಗ್ರಾಮದ ಗ್ರಾಮ ಪಂಚಾಯತ್ ಸದಸ್ಯರು ಕೆಲವು ಜನರ ಜೊತೆ ಸೇರಿಕೊಂಡು ರಸ್ತೆ ಅಗಲೀಕರಣಕ್ಕೆಂದು ರೈತರೊಬ್ಬರ ಮನೆಯನ್ನು ಕೆಡವಿ ಮನೆಯವರ ಮೇಲೆ ಮಾರಣಾಂತಿಕ ಹಲ್ಲೆ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ತಪ್ಪಿತಸ್ಥರ ವಿರುದ್ಧ ಯಾವ ಕ್ರಮ ಕೈಗೊಳ್ಳಲಾಗಿದೆ; (ಸಂಪೂರ್ಣ ಮಾಹಿತಿ ನೀಡುವುದು)

(ಈ) ಕಳೆದ 5 ವರ್ಷಗಳಿಂದ ಎಂ. ಶೆಟ್ಟಿಹಳ್ಳಿ ಗ್ರಾಮ ಪಂಚಾಯತ್ ಯೋಜನೆಯಡಿ ಯಾವ ಯಾವ ಕಾರ್ಯಗಳು ಅಭಿವೃದ್ಧಿಯಾಗಿದೆ; ಎಷ್ಟು ಹಣ ಬಳಸಲಾಗಿದೆ; (ಸಂಪೂರ್ಣ ಮಾಹಿತಿ ನೀಡುವುದು) ಹಣ ದುರುಪಯೋಗವಾಗಿದ್ದಲ್ಲಿ, ಯಾವ ಕ್ರಮಕೈಗೊಳ್ಳಲಾಗಿದೆ ? (ಸಂಪೂರ್ಣ ಮಾಹಿತಿ ನೀಡುವುದು)